ಸದನದಲ್ಲಿ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 06 ನೇ ಮಾರ್ಚ್, 2020

ಸಾರಿಗೆ ಸಂಸ್ಥೆಗಳ ಬಸ್‌ಗಳಲ್ಲಿ ವಿದ್ಯಾರ್ಥಿಗಳಿಗೆ ಬಸ್‌ಪಾಸ್ ವಿತರಣೆ ಕುರಿತು

ಶ್ರೀ ಮರಿತಿಬ್ಬೇಗೌಡ (ಶಿಕ್ಷಕರ ಕ್ಷೇತ್ರ) :-

048 (398) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕರ್ನಾಟಕ ರಾಜ್ಯ ರಸ್ತೆ ಸಾರಿಗೆ, ನಗರ ಸಾರಿಗೆ ಹಾಗೂ ಬೆಂಗಳೂರು ಮಹಾನಗರ ಸಾರಿಗೆ ಸಂಸ್ಥೆ ಬಸ್‌ಗಳಲ್ಲಿ ವಿದ್ಯಾರ್ಥಿಗಳಿಗೆ ರಿಯಾಯಿತಿ ಬಸ್‌ಪಾಸ್ ಸೌಲಭ್ಯಗಳನ್ನು ಕಲ್ಪಿಸಲಾಗಿದೆಯೇ ;

(ಆ) ರಿಯಾಯಿತಿ ಬಸ್‌ಪಾಸ್ ಸೌಲಭ್ಯವನ್ನು ನೀಡುವಲ್ಲಿ ಅನುಸರಿಸಲಾಗುತ್ತಿರುವ ಮಾನದಂಡಗಳೇನು ; (ಕರ್ನಾಟಕ ರಾಜ್ಯ ರಸ್ತೆ ಸಾರಿಗೆ ಸಂಸ್ಥೆ, ನಗರ ಸಾರಿಗೆ, ಬೆಂಗಳೂರು ಮಹಾನಗರ ಸಾರಿಗೆ ಸಂಸ್ಥೆವಾರು ಪ್ರತ್ಯೇಕವಾಗಿ ವಿವರ ನೀಡುವುದು)

(ಇ) ಕಳೆದ ಮೂರು ವರ್ಷಗಳಲ್ಲಿ ಈ ಸೌಲಭ್ಯ ಪಡೆದಿರುವ ವಿದ್ಯಾರ್ಥಿಗಳ ಒಟ್ಟು ಸಂಖ್ಯೆ ಎಷ್ಟು ; (ಕರ್ನಾಟಕ ರಾಜ್ಯ ರಸ್ತೆ ಸಾರಿಗೆ ಸಂಸ್ಥೆ, ನಗರ ಸಾರಿಗೆ, ಬೆಂಗಳೂರು ಮಹಾನಗರ ಸಾರಿಗೆ ಸಂಸ್ಥೆವಾರು ಪ್ರತ್ಯೇಕವಾಗಿ ವಿವರ ನೀಡುವುದು)

(ಈ) ಕಳೆದ 3 ವರ್ಷಗಳಿಂದ ರಿಯಾಯಿತಿ ಬಸ್‌ಪಾಸುಗಳ ವಿತರಣೆಯಿಂದ ಇಲಾಖೆಗೆ ಸಂದಾಯವಾದ ಮೊತ್ತವೆಷ್ಟು ; (ಕರ್ನಾಟಕ ರಾಜ್ಯ ರಸ್ತೆ ಸಾರಿಗೆ ಸಂಸ್ಥೆ, ನಗರ ಸಾರಿಗೆ, ಬೆಂಗಳೂರು ಮಹಾನಗರ ಸಾರಿಗೆ ಸಂಸ್ಥೆವಾರು ಪ್ರತ್ಯೇಕವಾಗಿ ವಿವರ ನೀಡುವುದು)

(ಉ) ವಿದ್ಯಾರ್ಥಿಗಳಿಗೆ ಉಚಿತ ಬಸ್‌ಪಾಸ್ ಸೌಲಭ್ಯವನ್ನು ಕಲ್ಪಿಸಲು ಸರ್ಕಾರ ಚಿಂತಿಸಿದೆಯೇ ;

(ಊ) ಯಾವ ಕಾಲಮಿತಿಯಲ್ಲಿ ಉಚಿತ ಬಸ್‌ಪಾಸ್ ಸೌಲಭ್ಯವನ್ನು ಕಲ್ಪಿಸಲಾಗುವುದು?